# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಹತ್ತನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 14ನೇ ಸೆಪ್ಟೆಂಬರ್, 2021
(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

### 1. ಸಂತಾಪ ಸೂಚನೆ

### 2. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಎರಡನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಎರಡನೇ ಪಟ್ಟಿ

### 3. ಕಾರ್ಯದರ್ಶಿಯವರ ವರದಿ

**ಕಾರ್ಯದರ್ಶಿಯವರು:-**

ಕಳೆದ ಅಧಿವೇಶನದಲ್ಲಿ ವರದಿಯನ್ನು ಒಪ್ಪಿಸಿದ ನಂತರ ರಾಷ್ಟ್ರಪತಿಗಳು / ರಾಜ್ಯಪಾಲರಿಂದ ಒಪ್ಪಿಗೆ ಪಡೆದ ವಿಧೇಯಕಗಳ ಪಟ್ಟಿಯನ್ನು ಸಭೆಯ ಮುಂದೆ ಮಂಡಿಸುವುದು.

### 4. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

ಮಾನ್ಯ ಸದಸ್ಯರುಗಳಿಗೆ ಪ್ರತ್ಯೇಕವಾಗಿ ಕಳುಹಿಸಲಾಗಿರುವ ಮೊದಲನೇ ಹಾಗೂ ಎರಡನೇ ಪಟ್ಟಿಯ ರೀತ್ಯಾ.

... 2/ ..

## 5. ವಿತ್ತೀಯ ಕಾರ್ಯಕಲಾಪಗಳು

**ಶ್ರೀ ಬಸವರಾಜ ಬೊಮ್ಮಾಯಿ (ಮುಖ್ಯಮಂತ್ರಿಗಳು) ಅವರು:–**

2021–22ನೇ ಸಾಲಿನ ಪೂರಕ ಅಂದಾಜುಗಳ ಮೊದಲನೇ ಕಂತಿನ ಬೇಡಿಕೆಗಳನ್ನು ಮಂಡಿಸುವುದು.

## 6. ಶಾಸನ ರಚನೆ

### ವಿಧೇಯಕಗಳನ್ನು ಮಂಡಿಸುವುದು

**1. ಶ್ರೀ ಬಸವರಾಜ್ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2021ನೇ ಸಾಲಿನ ಬೆಂಗಳೂರು ನೀರು ಸರಬರಾಜು ಮತ್ತು ಗ್ರಾಮಸಾರ ಚರಂಡಿ ವ್ಯವಸ್ಥೆ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**2. ಶ್ರೀ ಆರಗ ಜ್ಞಾನೇಂದ್ರ (ಮಾನ್ಯ ಗೃಹ ಸಚಿವರು) ಅವರು:–**

ಅ) 2021ನೇ ಸಾಲಿನ ಬಂದಿಗಳ ಗುರುತಿಸುವಿಕೆ (ಕರ್ನಾಟಕ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**3. ಶ್ರೀ ಆರಗ ಜ್ಞಾನೇಂದ್ರ (ಮಾನ್ಯ ಗೃಹ ಸಚಿವರು) ಅವರು:–**

ಅ) 2021ನೇ ಸಾಲಿನ ದಂಡ ಪ್ರಕ್ರಿಯಾ ಸಂಹಿತೆ (ಕರ್ನಾಟಕ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**4. ಶ್ರೀ ಆರಗ ಜ್ಞಾನೇಂದ್ರ (ಮಾನ್ಯ ಗೃಹ ಸಚಿವರು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ಬಂದೀಖಾನೆ ಅಭಿವೃದ್ಧಿ ಮಂಡಳಿ ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**5. ಶ್ರೀ ಆರ್. ಅಶೋಕ್ (ಮಾನ್ಯ ಕಂದಾಯ ಸಚಿವರು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ಸ್ಟಾಂಪು (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**6. ಶ್ರೀ ಬಿ.ಸಿ. ಪಾಟೀಲ್ (ಮಾನ್ಯ ಕೃಷಿ ಸಚಿವರು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ಕೃಷಿ ಸಂಬಂಧಿ ಕೀಟಗಳು ಮತ್ತು ರೋಗಗಳ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

## 7. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಎಸ್.ಎನ್. ಸುಬ್ಬಾರೆಡ್ಡಿ ಅವರು** - ಬಾಗೇಪಲ್ಲಿ ತಾಲ್ಲೂಕಿನಲ್ಲಿ ಒಂದೇ ಜಮೀನನ್ನು ಒಬ್ಬರಿಗೆ ಕರಾರು ಮತ್ತೊಬ್ಬರಿಗೆ ಕ್ರಯ ಮಾಡಿ ವಂಚಿಸುತ್ತಿರುವುದರಿಂದ ಸಂಬಂಧಪಟ್ಟವರ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

2) **ಶ್ರೀ ದೊಡ್ಡಗೌಡರ ಮಹಾಂತೇಶ ಬಸವಂತರಾಯ ಅವರು** –ರಾಣಿ ಚೆನ್ನಮ್ಮ ವಿಶ್ವವಿದ್ಯಾಲಯದ ವಿವಿಧ ವಿಭಾಗಗಳನ್ನು ಕಿತ್ತೂರು ನಗರದಲ್ಲಿ ಆರಂಭಿಸುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

3) **ಶ್ರೀ ಅಬ್ಬಯ್ಯ ಪ್ರಸಾದ್ ಅವರು** – ಹುಬ್ಬಳ್ಳಿ–ಧಾರವಾಡ–ಪೂರ್ವ ವಿಧಾನಸಭಾ ಕ್ಷೇತ್ರ ವ್ಯಾಪ್ತಿಯ ಹುಬ್ಬಳ್ಳಿ ನಗರದಲ್ಲಿ ಪರೀಕ್ಷಾ ಪೂರ್ವ ತರಬೇತಿ ಕಟ್ಟಡ ನಿರ್ಮಾಣ ವಿಳಂಬವಾಗುತ್ತಿರುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಸಚಿವರ ಗಮನ ಸೆಳೆಯುವುದು.

4) **ಶ್ರೀ ದೊಡ್ಡನಗೌಡ ಜಿ. ಪಾಟೀಲ್ ಅವರು** – ಬಾಗಲಕೋಟೆ ಜಿಲ್ಲೆ ಹುನಕುಂದ ಕ್ಷೇತ್ರದ ಇಲಕಲ್ ತಾಲ್ಲೂಕು ಕೇಂದ್ರದಲ್ಲಿ ಜೆ.ಎಂ.ಎಫ್.ಸಿ. ನ್ಯಾಯಾಲಯ ಕಟ್ಟಡ ನಿರ್ಮಾಣ ಮಾಡಲು ಅನುದಾನ ಮಂಜೂರು ಮಾಡುವ ಬಗ್ಗೆ ಮಾನ್ಯ ಸಣ್ಣ ನೀರಾವರಿ ಮತ್ತು ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಸಚಿವರ ಗಮನ ಸೆಳೆಯುವುದು.

5) **ಶ್ರೀ ಪಿ. ರಾಜೀವ್ ಅವರು** – ಬೆಂಗಳೂರಿನ ದೀಪಾಂಜಲಿ ನಗರ ವಾರ್ಡ್‌ನ ವ್ಯಾಪ್ತಿಯ ಕೊಳಗೇರಿ ಪ್ರದೇಶದಲ್ಲಿ ವಾಸಿಸುತ್ತಿರುವ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ವರ್ಗದ ಕುಟುಂಬಗಳಿಗೆ ಮನೆ ಹಂಚಿಕೆ ಮಾಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

...4/ ..

6) **ಶ್ರೀ ಗೂಳಿಹಟ್ಟಿ ಡಿ. ಶೇಖರ್ ಅವರು** – ಚಿತ್ರದುರ್ಗ ಜಿಲ್ಲೆ ಹೊಸದುರ್ಗ ತಾಲ್ಲೂಕಿನ ವಾಣಿವಿಳಾಸ ಸಾಗರ ಜಲಾಶಯ ಹಿನ್ನೀರಿನಲ್ಲಿ ಲಭ್ಯವಿರುವ ನೀರನ್ನು ಕುಡಿಯುವ ಮತ್ತು ಇತರೆ ಉದ್ದೇಶಕ್ಕೆ ಹಂಚಿಕೆ ಮಾಡುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

7) **ಡಾ. ಅಜಯ್ ಧರ್ಮಸಿಂಗ್ ಅವರು** – ಕಲ್ಯಾಣ ಕರ್ನಾಟಕ ಅಭಿವೃದ್ಧಿಗಾಗಿ ಮೀಸಲಿಟ್ಟಿರುವ ಅನುದಾನವನ್ನು ಬಿಡುಗಡೆ ಮಾಡುವ ಬಗ್ಗೆ ಮಾನ್ಯ ತೋಟಗಾರಿಕೆ ಹಾಗೂ ಯೋಜನೆ, ಕಾರ್ಯಕ್ರಮ ಸಂಯೋಜನೆ ಮತ್ತು ಸಾಂಖ್ಯಿಕ ಸಚಿವರ ಗಮನ ಸೆಳೆಯುವುದು.

8) **ಶ್ರೀ ಎಚ್.ಕೆ. ಪಾಟೀಲ್ ಅವರು** – ಬಾಗಲಕೋಟೆ ಜಿಲ್ಲೆ ಬಾದಾಮಿ ತಾಲ್ಲೂಕಿನ ಮಹಾಕೂಟ ಶಿವಯೋಗಿ ಮಂದಿರದ ಬಳಿ ನದಿ ಸ್ನಾನಕ್ಕೆ ಅಗತ್ಯ ಸುರಕ್ಷತಾ ವ್ಯವಸ್ಥೆಗಳನ್ನು ಕಲ್ಪಿಸುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

9) **ಡಾ.ಹೆಚ್.ಡಿ. ರಂಗನಾಥ್ ಅವರು** – ಸರ್ಕಾರಿ ಮೂಕ ಮಕ್ಕಳ ಶಾಲೆಯ ವಿಕಲಚೇತನ ಶಿಕ್ಷಕರಿಗೆ ವಿಶೇಷ ವಿಲೀನಾತಿ ನಿಯಮಗಳನ್ನು ರೂಪಿಸಿ ಜೇಷ್ಠತೆಯನ್ನು ನಿಗದಿಗೊಳಿಸಿ ನಿವೃತ್ತ ಶಿಕ್ಷಕರಿಗೆ ಪಿಂಚಣಿ ನೀಡುವ ಬಗ್ಗೆ ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಹಾಗೂ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರೀಕರ ಸಬಲೀಕರಣ ಸಚಿವರ ಗಮನ ಸೆಳೆಯುವುದು.

10) **ಶ್ರೀ ಉಮಾನಾಥ್ ಎ ಕೊಟ್ಯಾನ್ ಅವರು** – ದಕ್ಷಿಣ ಕನ್ನಡ ಜಿಲ್ಲೆಯಲ್ಲಿರುವ ಪ್ರಾಥಮಿಕ ಆಶ್ರಮ ಶಾಲೆಗಳಲ್ಲಿನ ಶಿಕ್ಷಕರಿಗೆ ಸೇವಾ ಭದ್ರತೆ ವೇತನ ನಿಗದಿಪಡಿಸುವ ಬಗ್ಗೆ ಮಾನ್ಯ ಸಾರಿಗೆ ಹಾಗೂ ಪರಿಶಿಷ್ಟ ಪಂಗಡಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

11) **ಶ್ರೀ ಕೆ.ವೈ. ನಂಜೇಗೌಡ ಅವರು** – ಕೋಲಾರ ಜಿಲ್ಲೆ ಮಾಲೂರು ವಿಧಾನಸಭಾ ಕ್ಷೇತ್ರ ವ್ಯಾಪ್ತಿಯಲ್ಲಿ ಗಂಗಾಕಲ್ಯಾಣ ಯೋಜನೆಯಡಿ ಕೊಳವೆ ಬಾವಿ ಕೊರೆಯಲು ರೈತ ಫಲಾನುಭವಿಗಳಿಂದ ಹೆಚ್ಚುವರಿ ಹಣವನ್ನು ಪಡೆಯುತ್ತಿರುವ ಏಜೆನ್ಸಿದಾರರ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

12) **ಶ್ರೀಮತಿ ಸೌಮ್ಯ ರೆಡ್ಡಿ ಅವರು** – ಜಯನಗರ ವಿಧಾನಸಭಾ ಕ್ಷೇತ್ರದಲ್ಲಿ ಸ್ಥಗಿತಗೊಂಡಿರುವ ಟೆಂಡರ್ ಶ್ಯೂರ್ ಕಾಮಗಾರಿ ಕೆಲಸವನ್ನು ಪುನರಾರಂಭಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

13) **ಶ್ರೀ ಕೆ. ಮಹದೇವ ಅವರು** – ಪಿರಿಯಾಪಟ್ಟಣ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯ ಹಾರಂಗಿ ಅಚ್ಚುಕಟ್ಟು ಪ್ರದೇಶದಲ್ಲಿ ತಡೆಹಿಡಿದಿರುವ ಕಾಮಗಾರಿಗಳನ್ನು ಮುಂದುವರೆಸುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

... 5/ ..

14) **ಶ್ರೀ ರಾಜಾ ವೆಂಕಟಪ್ಪ ನಾಯಕ್ ಅವರು** – ರಾಯಚೂರು ಜಿಲ್ಲೆ ಮಾನ್ವಿ ಪಟ್ಟಣದ ಘೋಷಿತ ಕೊಳಚೆ ಪ್ರದೇಶಗಳಿಗೆ ಮೂಲಭೂತ ಸೌಲಭ್ಯಗಳನ್ನು ಒದಗಿಸುವ ಬಗ್ಗೆ ಮಾನ್ಯ ವಸತಿ ಹಾಗೂ ಮೂಲಸೌಲಭ್ಯ ಅಭಿವೃದ್ಧಿ ಸಚಿವರ ಗಮನ ಸೆಳೆಯುವುದು.

15) **ಶ್ರೀ ಸಿ.ಎನ್. ಬಾಲಕೃಷ್ಣ ಅವರು** – ಶ್ರವಣಬೆಳಗೊಳ ವಿಧಾನಸಭಾ ಕ್ಷೇತ್ರದ ನುಗ್ಗೇಹಳ್ಳಿಯ ಸಮುದಾಯ ಆರೋಗ್ಯ ಕೇಂದ್ರದಲ್ಲಿ ಆಂಬ್ಯೂಲೆನ್ಸ್ ವಾಹನಗಳ ಕೊರತೆಯಿಂದ ರೋಗಿಗಳಿಗೆ ಉಂಟಾಗಿರುವ ಸಮಸ್ಯೆಗಳ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

16) **ಶ್ರೀ ಎಂ.ಪಿ. ಕುಮಾರಸ್ವಾಮಿ ಅವರು** – ಗೆಜೆಟೆಡ್ ಪ್ರೊಬೇಷನರಿ ನೇಮಕಾತಿ ಆಗದೇ ಇರುವುದರಿಂದ ಅರ್ಹ ಅಭ್ಯರ್ಥಿಗಳು ನಿರುದ್ಯೋಗಿಗಳಾಗಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

17) **ಶ್ರೀ ಡಿ.ಕೆ. ಶಿವಕುಮಾರ್ ಅವರು** – ಪ್ರಾಥಮಿಕ ಆರೋಗ್ಯ ಕೇಂದ್ರದಿಂದ ಬಿಡುಗಡೆಗೊಳಿಸಿರುವ ಆಯುಷ್ ವೈದ್ಯರನ್ನು ಪುನ: ಕರ್ತವ್ಯಕ್ಕೆ ತೆಗೆದುಕೊಂಡು ಖಾಯಂಗೊಳಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

18) **ಶ್ರೀ ಹೆಚ್.ಡಿ. ರೇವಣ್ಣ ಅವರು** – ಹೊಳೆನರಸೀಪುರ ಪುರಸಭೆ ವತಿಯಿಂದ ಕೈಗೊಂಡಿರುವ ಮೂಲಭೂತ ಸೌಕರ್ಯಗಳನ್ನು ಕಲ್ಪಿಸುವ ಅಭಿವೃದ್ಧಿ ಕಾಮಗಾರಿಗಳಿಗೆ ಅನುದಾನವನ್ನು ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

19) **ಶ್ರೀ ಶಿವಾನಂದ ಪಾಟೀಲ ಅವರು** – ಆರೋಗ್ಯ ಕಾರ್ಯಕ್ರಮಗಳನ್ನು ಉತ್ತಮ ಪಡಿಸಲು ಹಾಗೂ ರಾಷ್ಟ್ರೀಯ ಆರೋಗ್ಯ ಕಾರ್ಯಕ್ರಮಗಳನ್ನು ಪರಿಣಾಮಕಾರಿಯಾಗಿ ಅನುಷ್ಠಾನಗೊಳಿಸಲು ಕಛೇರಿಯನ್ನು ಸ್ಥಾಪಿಸಿ ಅಧಿಕಾರಿ/ಸಿಬ್ಬಂದಿಯನ್ನು ನೇಮಕ ಮಾಡಲು ವಿಜಯಪುರ ಜಿಲ್ಲೆಯಲ್ಲಿ ಅಪರ ನಿರ್ದೇಶಕರಿಗೆ ಅಧಿಕಾರ ನೀಡುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

20) **ಶ್ರೀ ಹೆಚ್.ಕೆ. ಕುಮಾರಸ್ವಾಮಿ ಅವರು** – ಹಾಸನ ಜಿಲ್ಲೆಯ ಶಾಂತಿಗ್ರಾಮ ಹೋಬಳಿ ಮೊಸಳೆಹೊಸಳ್ಳಿ ಗ್ರಾಮದ ಸರ್ಕಾರಿ ಇಂಜಿನಿಯರಿಂಗ್ ಕಾಲೇಜಿಗೆ ಯಂತ್ರೋಪಕರಣಗಳು, ಪೀಠೋಪಕರಣಗಳು, ಗ್ರಂಥಾಲಯಕ್ಕೆ ಅಗತ್ಯ ಪುಸ್ತಕಗಳನ್ನು ಒದಗಿಸಲು ಅವಶ್ಯವಿರುವ ಅನುದಾನವನ್ನು ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

**ಎಂ.ಕೆ. ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm